ಉತ್ತರ ಪತ್ರಿಕೆ

## ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆಗುರುತಿನ ಪ್ರಶ್ನೆ ಸಂಖ್ಯೆ : **1064**

ಸದಸ್ಯರ ಹೆಸರು : ಶ್ರೀ ಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ)

ಉತ್ತರಿಸಬೇಕಾದ ಸಚಿವರು : ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು

ಉತ್ತರಿಸಬೇಕಾದ ದಿನಾಂಕ : 12-03-2021

| ಕ್ರ ಸಂ. | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದಲ್ಲಿ ಸುಸ್ಥಿತಿಯಲ್ಲಿಲ್ಲದ ವಾಹನಗಳು (ಆಟೋ, ಲಾರಿ, ಬಸ್, ಟೆಂಪೋ) ರಸ್ತೆಯಲ್ಲಿ ಸಂಚರಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಹೌದು, ಸರ್ಕಾರದ ಗಮನಕ್ಕೆ ಬಂದಿರುತ್ತದೆ. |
| (ಆ) | ಈ ವಾಹನಗಳ ಸಂಚಾರದಿಂದ ಅಪಘಾತಗಳು ಹೆಚ್ಚಾಗಿ ಅಮಾಯಕರು ಬಲಿಯಾಗುತ್ತಿರುವುದು 'ಸರ್ಕಾರದ ಗಮನಕ್ಕೆ ಬಂದಿದೆಯೇ; | ಹೌದು, ಕೆಲವು ಪ್ರಕರಣಗಳಲ್ಲಿ ಸುಸ್ಥಿತಿಯಲ್ಲಿಲ್ಲದ ವಾಹನಗಳು ರಸ್ತೆಯ ಮೇಲೆ ಸಂಚರಿಸುವ ಸಂದರ್ಭದಲ್ಲಿ ಅಪಘಾತಗಳು ಸಂಭವಿಸಿ ಅಮಾಯಕರು ಬಲಿಯಾಗುತ್ತಿರುವ ಪ್ರಕರಣಗಳು ಸರ್ಕಾರದ ಗಮನಕ್ಕೆ ಬಂದಿರುತ್ತವೆ. ಇಂತಹ ವಾಹನಗಳ ವಿರುದ್ಧ ಕ್ರಮ ಜರುಗಿಸಲಾಗಿರುತ್ತದೆ ಮತ್ತು ರಸ್ತೆ ಅಪಘಾತಗಳನ್ನು ತಡೆಗಟ್ಟುವ ನಿಟ್ಟಿನಲ್ಲಿ ಎಲ್ಲಾ ರೀತಿಯ ಕ್ರಮಗಳನ್ನು ಕೈಗೊಳ್ಳಲಾಗುತ್ತಿದೆ. |
| (ಇ) | ಈ ವಾಹನಗಳ ಮಾಲೀಕರುಗಳು ಆರ್.ಟಿ.ಓ. ಕಛೇರಿಯಲ್ಲಿ ಲಂಚ ನೀಡಿ ಎಫ್.ಸಿ. ಪಡೆದು ರಸ್ತೆಯಲ್ಲಿ ಸಂಚರಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಅಂತಹ ಯಾವುದೇ ಪ್ರಕರಣಗಳು ಇಲಾಖೆಯಲ್ಲಿ ಕಂಡು ಬಂದಿರುವುದಿಲ್ಲ.<br><br>ಅರ್ಹತಾ ಪತ್ರಗಳನ್ನು ವಿತರಿಸುವ ಮೊದಲು ವಾಹನಗಳನ್ನು ಕೂಲಂಕಷವಾಗಿ ಅತ್ಯಾಧುನಿಕ ತಾಂತ್ರಿಕ ಪರೀಕ್ಷೆಗೆ ಒಳಪಡಿಸಲಾಗುತ್ತದೆ. ತಾಂತ್ರಿಕವಾಗಿ ಅರ್ಹವಾದ ವಾಹನಗಳಿಗೆ ಮಾತ್ರ ಅರ್ಹತಾ ಪತ್ರಗಳನ್ನು ನೀಡಲಾಗುತ್ತಿದೆ. |
| (ಈ) | ಬಂದಿದ್ದಲ್ಲಿ, ಹಳೆಯ ವಾಹನಗಳಿಗೆ ಕಾಲಮಿತಿಯನ್ನು ನಿಗದಿಪಡಿಸಿ ಇಂತಹ ವಾಹನಗಳ ಪರವಾನಿಗೆ ರದ್ದುಪಡಿಸಲು ಸರ್ಕಾರ ಕಟ್ಟುನಿಟ್ಟಿನ ಕ್ರಮ ಕೈಗೊಳ್ಳುವುದೇ? | ಮೋಟಾರು ವಾಹನಗಳ ಕಾಯ್ದೆ 1988ರ ಕಲಂ 59ರಲ್ಲಿ ವಾಹನಗಳಿಗೆ ಕಾಲಮಿತಿ ನಿಗದಿಗೊಳಿಸುವ ಅಧಿಕಾರ ಕೇಂದ್ರ ಸರ್ಕಾರಕ್ಕೆ ಇರುವುದರಿಂದ, ರಾಜ್ಯ ಸರ್ಕಾರದಿಂದ ವಾಹನಗಳಿಗೆ ಯಾವುದೇ ಕಾಲಮಿತಿ ನಿಗದಿಪಡಿಸಿರುವುದಿಲ್ಲ. |

ಟಿಡಿ 39 ಟಿಡಿಕ್ಯೂ 2021

(ಲಕ್ಷ್ಮಣ ಸಂಗಪ್ಪ ಸವದಿ)
ಉಪ ಮುಖ್ಯಮಂತ್ರಿಗಳು ಹಾಗೂ
ಸಾರಿಗೆ ಸಚಿವರು.